# ಕರ್ನಾಟಕ ವಿಧಾನಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 1152

ಸದಸ್ಯರ ಹೆಸರು : ಶ್ರೀ ಯು.ಬಿ.ವೆಂಕಟೇಶ್
(ನಾಮ ನಿರ್ದೇಶನ ಹೊಂದಿದವರು)

ಉತ್ತರಿಸುವ ದಿನಾಂಕ : 23.12.2021

| ಕ್ರ.ಸಂ | ಪ್ರಶ್ನೆ | ಉತ್ತರ |
|---|---|---|
| (ಅ) | ಆಕಾಶವಾಣಿ ಸೇರಿದಂತೆ ದೂರದರ್ಶನದ ಪ್ರಾದೇಶಿಕ ಕಾರ್ಯಕ್ರಮ ಹಾಗೂ ಪ್ರಸಾರ ಕೇಂದ್ರಗಳ ಸ್ಥಗಿತಕ್ಕೆ ಕೇಂದ್ರ ಸರ್ಕಾರ ಮುಂದಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ : | ಆಕಾಶವಾಣಿ ಮತ್ತು ದೂರದರ್ಶನ ಈ ಎರಡೂ ಸಂಸ್ಥೆಗಳು ಕೇಂದ್ರ ಸರ್ಕಾರದ ವಾರ್ತಾ ಮತ್ತು ಪ್ರಸಾರ ಮಂತ್ರಾಲಯದ ಪ್ರಸಾರ ಭಾರತಿ ಸಂಸ್ಥೆಯ ವ್ಯಾಪ್ತಿಗೆ ಒಳಪಡುತ್ತವೆ.<br>ವಾರ್ತಾ ಮತ್ತು ಸಾರ್ವಜನಿಕ ಸಂಪರ್ಕ ಇಲಾಖೆಯ ಕಾರ್ಯವ್ಯಾಪ್ತಿಗೆ ಆಕಾಶವಾಣಿ ಮತ್ತು ದೂರದರ್ಶನ ಕೇಂದ್ರಗಳು ಒಳಪಡುವುದಿಲ್ಲ. |
| (ಆ) | ಈಗಾಗಲೇ ಪ್ರಸಾರದ ಅವಧಿ ಕಡಿತ ಹಾಗೂ ಸಿಬ್ಬಂದಿಗಳನ್ನು ವಜಾ ಮಾಡಿರುವುದನ್ನು ಗಮನಿಸಿದೆಯೇ : ಗಮನಿಸಿದ್ದಲ್ಲಿ, ಯಥಾಸ್ಥಿತಿ ಮುಂದುವರೆಸುವ ನಿಟ್ಟಿನಲ್ಲಿ ರಾಜ್ಯ ಸರ್ಕಾರ ಕೇಂದ್ರ ಸರ್ಕಾರದೊಂದಿಗೆ ಮಾತುಕತೆ ನಡೆಸಿದೆಯೇ : | ಈ ಕುರಿತು ಕೇಂದ್ರ ಸರ್ಕಾರದೊಂದಿಗೆ ಯಾವುದೇ ಮಾತುಕತೆ ನಡೆಸಿರುವುದಿಲ್ಲ. |
| (ಇ) | ಮಾತುಕತೆಗಳ ಫಲಿತಾಂಶವೇನು : ಕೈಗೊಂಡಿರುವ ಕ್ರಮಗಳೇನು ? | ಪ್ರಶ್ನೆ ಉದ್ಭವಿಸುವುದಿಲ್ಲ. |

**ಸಂಖ್ಯೆ:ಕೆಸಿಖ-ಪಿಖಪಿ/340/2021**

(ಬಸವರಾಜ ಬೊಮ್ಮಾಯಿ)
ಮುಖ್ಯಮಂತ್ರಿ